ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಶುಕ್ರವಾರ, ದಿನಾಂಕ : 26ನೇ ಜುಲೈ, 2019

ಪಟ್ಟಣ ಪಂಚಾಯತಿಗಳನ್ನು ಮೇಲ್ದರ್ಜೆಗೇರಿಸಿದ ಮೇಲೆ ಅನುದಾನ ನೀಡದಿರುವ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

625 (746) ಮಾನ್ಯ ಪೌರಾಡಳಿತ ಮತ್ತು ಸ್ಥಳೀಯ ಸಂಸ್ಥೆಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ)ರಾಜ್ಯದಲ್ಲಿ ನೂತನವಾಗಿ ಮೇಲ್ದರ್ಜೆಗೇರಿಸಲ್ಪಟ್ಟ ಪಟ್ಟಣ ಪಂಚಾಯತಿಗಳಿಗೆ ದೈನಂದಿನ ಕಾರ್ಯ ನಿರ್ವಹಿಸಲು ಅಗತ್ಯ ಅನುದಾನ ಒದಗಿಸದಿರುವುದರಿಂದ ಹಾಗೂ ಸಿಬ್ಬಂದಿಗಳ ಕೊರತೆಯಿಂದ ದೈನಂದಿನ ಸಾರ್ವಜನಿಕ ಕೆಲಸ ಕಾರ್ಯಗಳಿಗೆ ತೊಂದರೆ ಆಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬೆಳಗಾವಿ ಜಿಲ್ಲೆಯಲ್ಲಿ ಗ್ರಾಮ ಪಂಚಾಯತಿಗಳನ್ನು ಪಟ್ಟಣ ಪಂಚಾಯತಿಗಳಾಗಿ ಮೇಲ್ದರ್ಜೆಗೇರಿಸಿದ ಮೇಲೆ ಇಲ್ಲಿಯವರೆಗೆ ಬಿಡುಗಡೆ ಮಾಡಿದ ಅನುದಾನವೆಷ್ಟು ; (ಪಟ್ಟಣ ಪಂಚಾಯತಿವಾರು, ವರ್ಷಾವಾರು ವಿವರ ನೀಡುವುದು)

(ಇ) ಬೆಳಗಾವಿ ಜಿಲ್ಲೆಯಲ್ಲಿ ನೂತನ ಪಟ್ಟಣ ಪಂಚಾಯತಿಗಳಿಗೆ ಅವಶ್ಯವಿರುವ ಸಿಬ್ಬಂದಿಯನ್ನು ಒದಗಿಸಲಾಗಿದೆಯೇ ; ಒದಗಿಸಿರುವ ಹಾಗೂ ಹಾಲಿ ಕರ್ತವ್ಯ ನಿರ್ವಹಿಸುತ್ತಿರುವ ಸಿಬ್ಬಂದಿಗಳ ಬಗ್ಗೆ ಪಟ್ಟಣ ಪಂಚಾಯತಿವಾರು ವಿವರ ನೀಡುವುದು;

(ಈ) ಖಾಲಿ ಇರುವ ಹುದ್ದೆಗಳಿಗೆ ಯಾವ ಕಾಲಮಿತಿಯಲ್ಲಿ ನೇಮಕಾತಿಗಳನ್ನು ಮಾಡಲಾಗುವುದು ; ಹಾಲಿ ಕಾರ್ಯನಿರ್ವಹಿಸುತ್ತಿರುವ ಸಿಬ್ಬಂದಿಗೆ ಪೂರ್ಣ ಪ್ರಮಾಣದ ವೇತನ ನೀಡಲಾಗುತ್ತಿದೆಯೇ ; ವೇತನ ನೀಡುವಲ್ಲಿ ವಿಳಂಬವಾಗಿದ್ದರೆ, ಅದಕ್ಕೆ ಕಾರಣಗಳೇನು ;

(ಉ) ಮೇಲ್ದರ್ಜೆಗೇರಿಸಿದ ಪುರಸಭೆ, ಪಟ್ಟಣ ಪಂಚಾಯತಿಗಳಿಗೆ ಯಾವ ಕಾಲಮಿತಿಯಲ್ಲಿ ಸಂಪೂರ್ಣ ಮೂಲಭೂತ ಸೌಲಭ್ಯಗಳನ್ನು ಹಾಗೂ ಅತ್ಯಗತ್ಯವಿರುವ ಅನುದಾನವನ್ನು ಒದಗಿಸಲಾಗುವುದು? (ವಿವರ ನೀಡುವುದು)